

# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ಗುರುತಿನ ಪ್ರಶ್ನೆ**

ದಿನಾಂಕ : 19-03-2021 ಪ್ರಶ್ನೆ ಸಂಖ್ಯೆ : 233 (1650)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ರಘುನಾಥ್ ರಾವ್ ಮಲ್ಕಾಪೂರೆ (ವಿಧಾನಸಭೆಯಿಂದ ಚುನಾಯಿತರಾದವರು )

ಉತ್ತರ ನೀಡಬೇಕಾದ ದಿನಾಂಕ : 19-03-2021

ಉತ್ತರಿಸುವ ಸಚಿವರು: ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು

ವಿಷಯ : ಹೊಸ ಸ್ಲೀಪರ್ ಅಂಬಾರಿ ಬಸ್ಸು ಹಾಕುವ ಕುರಿತು

(ಅ) ಈಶಾನ್ಯ ಕರ್ನಾಟಕ ರಸ್ತೆ ಸಾರಿಗೆ ಸಂಸ್ಥೆಯಲ್ಲಿರುವ ಬೀದರ್, ಬೆಂಗಳೂರು ವಯಾ ಹೈದ್ರಾಬಾದ್ ಮಾರ್ಗವಾಗಿ ಚಲಿಸುವ ಎ.ಸಿ ಬಸ್ಸುಗಳು ಹಾಳಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಹಾಗಿದ್ದಲ್ಲಿ, ಕಳೆದ ಮೂರು ವರ್ಷಗಳಿಂದಲೂ ಹಳೆಯ ಎಲ್ಲಾ ತರಹದ ಬಸ್ಸುಗಳು ಸಂಚರಿಸುತ್ತಿರುವುದರಿಂದ ಪ್ರಯಾಣಿಕರಿಗೆ ತೊಂದರೆ ಉಂಟಾಗಿರುವುದು ನಿಜವೇ; (ಮಾಹಿತಿ ನೀಡುವುದು)

(ಇ) ಹೈದ್ರಾಬಾದ್ ಮಾರ್ಗವಾಗಿ ಚಲಿಸುವ ಬಸ್ಸುಗಳನ್ನು ಬದಲಾಯಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ ಹಾಗೂ ಹೊಸದಾಗಿ ಅಂಬಾರಿ ಸ್ಲೀಪರ್ ಬಸ್ಸು ಹಾಕುವುದರಿಂದ ಸಾರ್ವಜನಿಕರಿಗೂ ಅನುಕೂಲವಾಗುವುದಲ್ಲವೇ; ಇದರ ಬಗ್ಗೆ ಸರ್ಕಾರವು ಯಾವ ಕ್ರಮ ಕೈಗೊಳ್ಳಲಾಗುವುದು? (ಮಾಹಿತಿ ನೀಡುವುದು)